ಸದನದಲ್ಲಿ ಉತ್ತರಿಸುವ ಪ್ರಶ್ನೆ



ಕರ್ನಾಟಕ ವಿಧಾನ ಪರಿಷತ್ತು

ನೂರ ನಲವತ್ತನೆಯ ಅಧಿವೇಶನ

ಶುಕ್ರವಾರ, ದಿನಾಂಕ : 20 ನೇ ಮಾರ್ಚ್, 2020

ಗ್ರಾಮೀಣ ಸಂಪರ್ಕ ರಸ್ತೆಗಳ ಬಗ್ಗೆ

ಶ್ರೀ ಎನ್. ಅಪ್ಪಾಜಿಗೌಡ(ಸ್ಥಳೀಯ ಸಂಸ್ಥೆಗಳ ಕ್ಷೇತ್ರ):-

206 (1647) ಮಾನ್ಯ ಗ್ರಾಮೀಣಾಭಿವೃದ್ಧಿ ಮತ್ತು ಪಂಚಾಯತ್ ರಾಜ್ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ:-

(ಅ) ರಾಜ್ಯದಲ್ಲಿ ಅನೇಕ ಗ್ರಾಮೀಣ ಸಂಪರ್ಕ ರಸ್ತೆಗಳು ತೀರ ಹದಗೆಟ್ಟಿದ್ದು ಅವುಗಳ ನಿರ್ಮಾಣ ಮತ್ತು ನಿರ್ವಹಣೆಗೆ ಸರ್ಕಾರವು ಯಾವುದಾದರೂ ಯೋಜನೆಯನ್ನು ರೂಪಿಸಿದೆಯೇ ;

(ಆ) ಹಾಗಿದ್ದಲ್ಲಿ, ಆ ಯೋಜನೆಗಳು ಯಾವುವು ಮತ್ತು ಎಷ್ಟು ಕಿ.ಮೀ. ರಸ್ತೆಗಳನ್ನು ಸರಿಪಡಿಸಲು ಅಂದಾಜು ಮಾಡಲಾಗಿದೆ ; (ಜಿಲ್ಲಾವಾರು, ಪ್ರತ್ಯೇಕವಾಗಿ ಮಂಡ್ಯ ಜಿಲ್ಲೆಯ ತಾಲ್ಲೂಕುವಾರು ಮಾಹಿತಿ ನೀಡುವುದು)

(ಇ) ಸಮಗ್ರ ಅಭಿವೃದ್ಧಿಗಾಗಿ ಹಂತ ಹಂತವಾಗಿ ನಿರ್ಮಿಸಲು ಯಾವುದಾದರೂ ಯೋಜನೆ ರೂಪಿಸಲಾಗಿದೆಯೇ ; ಈ ಯೋಜನೆಗೆ ತಗಲುವ ಅನುದಾನವೆಷ್ಟು? (ಮಂಡ್ಯ ಜಿಲ್ಲೆಯ ತಾಲ್ಲೂಕುವಾರು ಮಾಹಿತಿ ನೀಡುವುದು)